ಸದನದಲ್ಲಿ ಉತ್ತರಿಸುವ ಪ್ರಶ್ನೆ

**ಕರ್ನಾಟಕ ವಿಧಾನ ಪರಿಷತ್ತು**
ನೂರ ನಲವತ್ತೆರಡನೆಯ ಅಧಿವೇಶನ
ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ಮಣ್ಣಿನ ಫಲವತ್ತತೆ ಮತ್ತು ಪರೀಕ್ಷಾ ಪ್ರಯೋಗಾಲಯಗಳ ಸ್ಥಾಪನೆ ಬಗ್ಗೆ

ಶ್ರೀ ಕೆ.ಎ. ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು) -

31 (304) ಕೃಷಿ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ರಾಜ್ಯದಲ್ಲಿ ಮಣ್ಣಿನ ಫಲವತ್ತತೆಗೆ ಸಂಬಂಧಿಸಿದಂತೆ ಕೃಷಿ ಭೂಮಿ ಗರಿಷ್ಠ ಸವಾಲುಗಳನ್ನು ಎದುರಿಸುತ್ತಿರುವ ಜಿಲ್ಲೆಗಳು ಯಾವುವು ;

(ಆ) ಈ ಜಿಲ್ಲೆಗಳಲ್ಲಿನ ಮಣ್ಣಿನ ಫಲವತ್ತತೆ ಕಾರ್ಡ್/ಮಣ್ಣಿನ ಆರೋಗ್ಯ ಕಾರ್ಡ್‌ಗಳನ್ನು ವಿತರಿಸಲಾದ ರೈತರ ಸಂಖ್ಯೆ ಎಷ್ಟು ; (ಜಿಲ್ಲಾವಾರು ವಿವರ ನೀಡುವುದು)

(ಇ) ರಾಜ್ಯದಲ್ಲಿ ಸ್ಥಾಪಿಸಲಾಗಿರುವ ಮಣ್ಣಿನ ಪರೀಕ್ಷಾ ಪ್ರಯೋಗಾಲಯಗಳ ಸಂಖ್ಯೆ ಎಷ್ಟು ; (ಜಿಲ್ಲಾವಾರು ವಿವರ ನೀಡುವುದು)

(ಈ) ರಾಜ್ಯದ ಪ್ರತಿ ಜಿಲ್ಲೆಯಲ್ಲೂ ಕನಿಷ್ಠ ಒಂದು ಮಣ್ಣಿನ ಪರೀಕ್ಷಾ ಪ್ರಯೋಗಾಲಯವನ್ನು ಮತ್ತು ಸಂಚಾರಿ ಮಣ್ಣಿನ ಪರೀಕ್ಷಾ ಪ್ರಯೋಗಾಲಯವನ್ನು ಸ್ಥಾಪಿಸಲು ಸರ್ಕಾರ ಯೋಜಿಸಿದೆಯೇ ;

(ಉ) ಮಣ್ಣಿನ ಆರೋಗ್ಯ ಕಾರ್ಡ್ ಯೋಜನೆಯ ವಿತರಣೆಯಲ್ಲಿ ಖಾಸಗಿ ಸಂಸ್ಥೆಗಳು ಮತ್ತು ನಿರುದ್ಯೋಗಿ ಕೃಷಿ ಪದವೀಧರರು ಮತ್ತು ಕಾಲೇಜು ವಿದ್ಯಾರ್ಥಿಗಳ ಪಾಲ್ಗೊಳ್ಳುವಿಕೆಯನ್ನು ಪರಿಗಣಿಸಿ ಸರ್ಕಾರ ಕ್ರಮ ತೆಗೆದುಕೊಳ್ಳುವುದೇ ?